ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 16ನೇ ಮಾರ್ಚ್, 2020

ರಾಜ್ಯದಲ್ಲಿ ಪ್ರಾಥಮಿಕ ಮತ್ತು ಪ್ರೌಢ ಶಾಲೆಗಳ ಮಟ್ಟದಲ್ಲಿ ಶಾಲೆಗಳಿಗೆ ಮಧ್ಯದಲ್ಲಿ ಬಿಟ್ಟು ಹೋಗುವ ವಿದ್ಯಾರ್ಥಿಗಳ ಸಂಖ್ಯೆಯ ಕುರಿತು

ಶ್ರೀ ಕೆ.ಎ. ತಿಪ್ಪೇಸ್ವಾಮಿ (ನಾಮನಿರ್ದೇಶನ ಹೊಂದಿದವರು) :-

1010 (1217) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಮತ್ತು ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ ಮೂರು ವರ್ಷಗಳಲ್ಲಿ ರಾಜ್ಯದಲ್ಲಿ ಪ್ರಾಥಮಿಕ ಮತ್ತು ಪ್ರೌಢ ಶಾಲೆಗಳ ಮಟ್ಟದಲ್ಲಿ ಶಾಲೆಗಳಿಂದ ಮಧ್ಯದಲ್ಲಿ ಬಿಟ್ಟು ಹೋದ (Drop out) ವಿದ್ಯಾರ್ಥಿಗಳ ಸಂಖ್ಯೆ ಎಷ್ಟು; (ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ರಾಜ್ಯದಲ್ಲಿ ಪ್ರಾಥಮಿಕ ಮತ್ತು ಪ್ರೌಢ ಶಾಲೆಗಳ ವಿದ್ಯಾರ್ಥಿಗಳು ಮಧ್ಯದಲ್ಲಿ ಬಿಟ್ಟು ಹೋಗಲು (Drop out) ಕಾರಣಗಳು ಏನೆಂದು ಸರ್ಕಾರ ಗುರುತಿಸಿದೆಯೇ;

(ಇ) ರಾಜ್ಯದಲ್ಲಿ ಪ್ರಾಥಮಿಕ ಮತ್ತು ಪ್ರೌಢ ಶಾಲೆಗಳ ಮಟ್ಟದಲ್ಲಿ ಮಧ್ಯದಲ್ಲಿ ಬಿಟ್ಟು ಹೋಗುವ (Drop out) ಮಕ್ಕಳಲ್ಲಿ ವಿದ್ಯಾರ್ಥಿ ಮತ್ತು ವಿದ್ಯಾರ್ಥಿನಿಯರ ನಡುವಿನ ಅನುಪಾತವೆಷ್ಟು;

(ಈ) ಕಳೆದ ಮೂರು ವರ್ಷಗಳಲ್ಲಿ ಶಾಲೆಗಳಿಂದ ಬಿಟ್ಟು ಹೋಗುವ ಮಕ್ಕಳಲ್ಲಿ ವಿದ್ಯಾರ್ಥಿ ಮತ್ತು ವಿದ್ಯಾರ್ಥಿನಿಯರ ನಡುವಿನ ಅನುಪಾತದಲ್ಲಿ ವಿದ್ಯಾರ್ಥಿನಿಯರ ಸಂಖ್ಯೆ ಅತಿ ಹೆಚ್ಚು ಎಂಬುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ಸಂಪೂರ್ಣ ಮಾಹಿತಿ ನೀಡುವುದು;

(ಉ) ಶಾಲೆಗಳಿಂದ ವಿದ್ಯಾರ್ಥಿಗಳು ಹೊರಗೆ ಉಳಿಯುವುದನ್ನು ತಪ್ಪಿಸಲು ಸರ್ಕಾರ ಹಮ್ಮಿಕೊಂಡಿರುವ ಕಾರ್ಯಕ್ರಮ ಯೋಜನೆಗಳು ಯಾವುವು? (ಪೂರ್ಣ ಮಾಹಿತಿ ನೀಡುವುದು)